ಎಸ್.ಸಿ.ಪಿ. ಯೋಜನೆ ಕಾಮಗಾರಿಗಳು

ಶ್ರೀ ಆರ್. ಧರ್ಮಸೇನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

19 (73) ಮಾನ್ಯ ಸಮಾಜ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮೈಸೂರು ಜಿಲ್ಲೆಯಲ್ಲಿ ಎಸ್.ಸಿ.ಪಿ. ಯೋಜನೆ ಅಡಿಯಲ್ಲಿ ಕೈಗೊಂಡಿರುವ ಕಾಮಗಾರಿಗಳಾವುವು ; (ತಾಲ್ಲೂಕುವಾರು ವಿವರ ನೀಡುವುದು)

(ಆ) ಟಿ.ನರಸೀಪುರದ ಗೋಪಾಲಪುರದಲ್ಲಿ ಹೆಚ್ಚಿನ ಸಂಖ್ಯೆಯಲ್ಲಿ ಪರಿಶಿಷ್ಟ ಜಾತಿಗೆ ಸೇರಿದವರು ವಾಸವಾಗಿದ್ದು, ಅಲ್ಲಿರುವ ಸ್ಮಶಾನಕ್ಕೆ ಯಾವುದೇ ಮೂಲಭೂತ ಸೌಲಭ್ಯಗಳಿಲ್ಲದಿರುವುದರಿಂದ ತೊಂದರೆಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಇ) ಸ್ಮಶಾನದ ಅಭಿವೃದ್ಧಿ, ಸ್ಮಶಾನಕ್ಕೆ ಹೋಗುವ ರಸ್ತೆ ಅಭಿವೃದ್ಧಿ ಮತ್ತಿತರ ಮೂಲಭೂತ ಸೌಲಭ್ಯಗಳನ್ನು ಎಸ್.ಸಿ.ಪಿ. ಯೋಜನೆಯಲ್ಲಿ ಅಳವಡಿಸಿ ಹೆಚ್ಚಿನ ಅನುದಾನವನ್ನು ಮಂಜೂರು ಮಾಡಿ ಕಾಮಗಾರಿಗಳನ್ನು ಎಷ್ಟು ದಿವಸಗಳಲ್ಲಿ ಪ್ರಾರಂಭ ಮಾಡಲಾಗುವುದು?